ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 06 ನೇ ಮಾರ್ಚ್, 2020

ಕನ್ನಡ ಮತ್ತು ಸಂಸ್ಕೃತಿ ಇಲಾಖೆಯಿಂದ ಆಚರಿಸುವ ಜಯಂತಿಗಳು

ಶ್ರೀ ಐವನ್ ಡಿ'ಸೋಜಾ (ನಾಮನಿರ್ದೇಶನ ಹೊಂದಿದವರು):-

299 (323) ಮಾನ್ಯ ಪ್ರವಾಸೋದ್ಯಮ, ಕನ್ನಡ ಮತ್ತು ಸಂಸ್ಕೃತಿ ಹಾಗೂ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕನ್ನಡ ಮತ್ತು ಸಂಸ್ಕೃತಿ ಇಲಾಖೆಯಿಂದ ರಾಜ್ಯದಲ್ಲಿ ವರ್ಷವೊಂದಕ್ಕೆ ಜಯಂತಿಗಳನ್ನು ಸರ್ಕಾರ ಆಚರಿಸುತ್ತಿದೆ; ಇದಕ್ಕೆ ತಗಲುವ ವೆಚ್ಚ ಎಷ್ಟು;

(ಆ) 2018-19 ಮತ್ತು 2019-20ನೇ ಸಾಲಿನಲ್ಲಿ ಯಾವ ಯಾವ ಜಯಂತಿಗೆ ಎಷ್ಟು ಹಣವನ್ನು ಖರ್ಚು ಮಾಡಲಾಗಿದೆ; ಇದರಲ್ಲಿ ಭಾಗವಹಿಸಿದವರ ಸಂಖ್ಯೆ ಎಷ್ಟು;

(ಇ) ವಿವಿಧ ಜಯಂತಿಗಳ ಆಚರಣೆಯಲ್ಲಿ ಸಾರ್ವಜನಿಕ ಸಹಭಾಗಿತ್ವ ಇಲ್ಲದೇ ಇರುವುದರಿಂದ ಸರ್ಕಾರ ತನ್ನ ಉದ್ದೇಶವನ್ನು ಈಡೇರಿಸುವುದೇ; ಇದರಿಂದಾಗಿ ದುಂದು ವೆಚ್ಚವಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಇದನ್ನು ಸರಿಪಡಿಸಲು ಕೈಗೊಂಡಿರುವ ಕ್ರಮಗಳೇನು; (ವಿವರ ನೀಡುವುದು)

(ಈ) ಕನ್ನಡ ಮತ್ತು ಸಂಸ್ಕೃತಿ ಇಲಾಖೆಯಿಂದ ಎಲ್ಲಾ ಜಯಂತಿಗಳನ್ನು ರಾಜ್ಯದ ಒಂದು ನಿಗದಿತ ಸ್ಥಳದಲ್ಲಿ ಏರ್ಪಡಿಸಲು ಸರ್ಕಾರ ಕ್ರಮಕೈಗೊಳ್ಳುವುದೇ?